ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೊಂದನೆಯ ಅಧಿವೇಶನ

ಮಂಗಳವಾರ, ದಿನಾಂಕ: 29ನೇ ಸೆಪ್ಟಂಬರ್, 2020

ಮಂಡ್ಯ ಜಿಲ್ಲೆ, ನಾಗಮಂಗಲ ತಾಲ್ಲೂಕು, ಕಾಳಿಂಗನಹಳ್ಳಿ ಗ್ರಾಮ ಪಂಚಾಯಿತಿಯಲ್ಲಿ ಕೈಗಾರಿಕೆ ಹಬ್ ಸ್ಥಾಪನೆ ಬಗ್ಗೆ

ಶ್ರೀ ಎನ್. ಅಪ್ಪಾಜಿಗೌಡ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) :-

904 (1102) ಮಾನ್ಯ ಬೃಹತ್ ಮತ್ತು ಮಧ್ಯಮ ಕೈಗಾರಿಕೆ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಮಂಡ್ಯ ಜಿಲ್ಲೆ, ನಾಗಮಂಗಲ ತಾಲ್ಲೂಕು ಬೆಳ್ಳೂರು ಹೋಬಳಿ ಕಾಳಿಂಗನಹಳ್ಳಿ ಗ್ರಾಮ ಪಂಚಾಯಿತಿ ವ್ಯಾಪ್ತಿಯಲ್ಲಿ ಸುಮಾರು 1220 ಎಕರೆ ಕೃಷಿ ಭೂಮಿಯನ್ನು ಸರ್ಕಾರ ಕೈಗಾರಿಕಾ ಹಬ್ ಸ್ಥಾಪನೆ ಮಾಡಲು ರೈತರಿಂದ ವಶಪಡಿಸಿಕೊಳ್ಳುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಫಲವತ್ತಾದ ಕೃಷಿ ಭೂಮಿಯನ್ನು ವಶಪಡಿಸಿಕೊಂಡು ಕೈಗಾರಿಕಾ ಹಬ್ ಸ್ಥಾಪನೆ ಮಾಡುವುದಕ್ಕಿಂತ ತಾಲ್ಲೂಕಿನ ಎಲ್ಲಾ ಹೋಬಳಿ ಕೇಂದ್ರಗಳಲ್ಲಿ ವ್ಯವಸಾಯಕ್ಕೆ ಯೋಗ್ಯವಲ್ಲದ ಸರ್ಕಾರಿ ಭೂಮಿಯನ್ನು ಕೈಗಾರಿಕೆ ಸ್ಥಾಪನೆ ಮಾಡಲು ಬಳಸಬಹುದಲ್ಲವೆ; ಈ ಸಂಬಂಧ ನಾಗಮಂಗಲ ತಾಲ್ಲೂಕಿನ ವಿವಿಧ ಹೋಬಳಿಗಳಲ್ಲಿ ಖಾಲಿಯಿರುವ ಸರ್ಕಾರಿ ಭೂಮಿಯ ವಿವರ ಪಡೆಯಲಾಗಿದೆಯೇ;

(ಇ) ಪ್ರಸ್ತುತ ಉದ್ದೇಶಿತ ಕೈಗಾರಿಕಾ ಹಬ್ ಪ್ರದೇಶ ಹಾಗೂ ವಿಸ್ತೀರ್ಣವೆಷ್ಟು; ಸಂಪೂರ್ಣವಾದ ವಿವರ ನೀಡುವುದು; ಭೂಮಿ ಕಳೆದುಕೊಳ್ಳುವ ರೈತ ಫಲಾನುಭವಿಗಳ ವಿವರ ನೀಡುವುದು ?